

# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 285 |
| ಸದಸ್ಯರ ಹೆಸರು | ಶ್ರೀ ಕೆ.ಎ.ತಿಪ್ಪೇಸ್ವಾಮಿ (ನಾಮ ನಿರ್ದೇಶನ ಹೊಂದಿದವರು) |
| ಉತ್ತರಿಸಬೇಕಾದ ದಿನಾಂಕ | 14.09.2021 |
| ಉತ್ತರಿಸುವ ಸಚಿವರು | ಗಣಿ ಮತ್ತು ಭೂವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಮತ್ತು ವಿಕಲಚೇತನರ, ಹಿರಿಯ ನಾಗರಿಕರ ಸಬಲೀಕರಣ ಸಚಿವರು. |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದ ಎಲ್ಲಾ ಜಿಲ್ಲೆಗಳಲ್ಲಿ ಕಲ್ಲು ಗಣಿಗಾರಿಕೆ ನಡೆಯುತ್ತಿರುವುದು ನಿಜವೇ; | ಹೌದು. |
| ಆ) | ಪ್ರಮುಖವಾಗಿ ರಾಜ್ಯದ ಚಿಕ್ಕಬಳ್ಳಾಪುರ, ಕೋಲಾರ, ಬೆಂಗಳೂರು, ಬೆಳಗಾವಿ, ಕಲಬುರಗಿ ಜಿಲ್ಲೆಗಳಲ್ಲಿ ಅಧಿಕವಾಗಿ ಕಲ್ಲು ಗಣಿಗಾರಿಕೆ ನಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿರುತ್ತದೆ. |
| ಇ) | ಗಣಿಗಾರಿಕೆಗೆ ಗುರುತಿಸಿರುವ ಸರ್ಕಾರಿ ಭೂಮಿಯನ್ನು ಗುತ್ತಿಗೆ ಆಧಾರದ ಮೇಲೆ Tender-cum-Auction ಮುಖೇನ ನೀಡಲಾಗುತ್ತಿದ್ದರೂ, ಗುರುತಿಸದಿರುವ ಜಮೀನುಗಳಲ್ಲಿ ಮತ್ತು ಪಟ್ಟಾ ಭೂಮಿಗಳಲ್ಲಿ ಅಕ್ರಮ ಗಣಿಗಾರಿಕೆ ನಡೆಯುತ್ತಿರುವುದು ಮತ್ತು ಲೈಸನ್ಸ್ ಹೊಂದದಿರುವವರು ರಾತ್ರಿ ಹೊತ್ತಿನಲ್ಲಿ ಸರ್ಕಾರಿ ಗುಡ್ಡ-ಬೆಟ್ಟಗಳಲ್ಲಿ ಅಕ್ರಮ ಗಣಿಗಾರಿಕೆ ನಡೆಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿರುತ್ತದೆ. |
| ಈ) | ಕೆಲವೊಂದು ಪ್ರಕರಣಗಳಲ್ಲಿ ಮೇಲ್ನೋಟಕ್ಕೆ ಕೆಲವೇ ಜಮೀನಿನ ವಿಸ್ತೀರ್ಣಕ್ಕೆ ಕಲ್ಲು ಗಣಿಗಾರಿಕೆ ಲೈಸನ್ಸ್ ಪಡೆದು, ತದನಂತರ ಅಕ್ಕ-ಪಕ್ಕದಲ್ಲಿರುವ ಸರ್ಕಾರಿ ಅಥವಾ ಪಟ್ಟಾ ಭೂಮಿಗಳನ್ನು ಒತ್ತುವರಿ ಮಾಡಿ ಅಕ್ರಮ ಗಣಿಗಾರಿಕೆ ನಡೆಸುತ್ತಿರುವುದು ನಿಜವೇ? (ಸಂಪೂರ್ಣ ಮಾಹಿತಿ ನೀಡುವುದು) | ಕಳೆದ 03 ವರ್ಷಗಳಲ್ಲಿ ಅನಧಿಕೃತ ಕಲ್ಲು ಗಣಿಗಾರಿಕೆ ಸಂಬಂಧ ಪತ್ತೆ ಹಚ್ಚಿದ ಪ್ರಕರಣಗಳ ಸಂಖ್ಯೆ ಹಾಗೂ ಕೈಗೊಂಡ ಕ್ರಮಗಳ ವಿವರ ಕೆಳಕಂಡಂತಿವೆ: |

| ವರ್ಷ | ಪತ್ತೆ ಹಚ್ಚಿದ ಪ್ರಕರಣಗಳ ಸಂಖ್ಯೆ | ವಿಧಿಸಿದದಂಡ (ರೂ. ಲಕ್ಷಗಳಲ್ಲಿ | ದಾಖಲಿಸಿರುವ ಮೊಕದ್ದಮೆಗಳು |
|---|---|---|---|
| 2018-19 | 413 | 1213.37 | 108 |
| 2019-20 | 266 | 908.70 | 117 |
| 2020-21 | 555 | 1576.62 | 149 |
| **ಒಟ್ಟು** | **1234** | **3698.69** | **374** |

--2

| | | |
|---|---|---|
| | | ಗಣಿ ಮತ್ತು ಭೂವಿಜ್ಞಾನ ಇಲಾಖೆಯಿಂದ ರಾಜ್ಯದಲ್ಲಿ ಮಂಜೂರು ಮಾಡಿರುವ ಕಲ್ಲು ಗಣಿಗುತ್ತಿಗೆ ಪ್ರದೇಶಗಳಲ್ಲಿ ಹಾಗೂ ಕಲ್ಲು ಗಣಿಗುತ್ತಿಗೆ ಪ್ರದೇಶಗಳನ್ನು ಒತ್ತುವರಿ ಮಾಡಿ, ನಿಯಮ ಉಲ್ಲಂಘಿಸಿ ಸಂಚಿತ ಆಡಿಟ್ ಪ್ರಮಾಣಕ್ಕಿಂತ ಅಧಿಕವಾಗಿ ಉಪಖನಿಜವನ್ನು ಉತ್ಪಾದಿಸಿ, ಸಾಗಾಣಿಕೆ ಮಾಡಿರುವುದನ್ನು ಪತ್ತೆ ಹಚ್ಚಲು ಕರ್ನಾಟಕ ರಾಜ್ಯ ದೂರ ಸಂವೇದಿ ಕೇಂದ್ರ (KSRSAC) ಇವರಿಂದ ಕಲ್ಲು ಗಣಿಗುತ್ತಿಗೆ ಪ್ರದೇಶಗಳ ಡ್ರೋಣ್ / ಡಿ.ಜಿ.ಪಿ.ಎಸ್ ಸರ್ವೆ ಕೈಗೊಂಡು ಕ್ರಮವಹಿಸಲಾಗುತ್ತಿದೆ. |

ಸಂಖ್ಯೆ ಸಿಐ 447 ಎಂಎಂಎನ್ 2021

Halappa BA

(ಆಚಾರ್ ಹಾಲಪ್ಪ ಬಸಪ್ಪ)
ಗಣಿ ಮತ್ತು ಭೂವಿಜ್ಞಾನ ಹಾಗೂ ಮಹಿಳಾ
ಮತ್ತು ಮಕ್ಕಳ ಅಭಿವೃದ್ಧಿ ಮತ್ತು
ವಿಕಲಚೇತನರ, ಹಿರಿಯ ನಾಗರಿಕರ
ಸಬಲೀಕರಣ ಸಚಿವರು.